

## ಕರ್ನಾಟಕ ವಿಧಾನ ಪರಿಷತ್ತು

| | | |
|---|---|---|
| 1 | ಚುಕ್ಕೆ ಗುರುತಿನ ಪ್ರಶ್ನೆ ಸಂಖ್ಯೆ | 145 |
| 2 | ಸದಸ್ಯರ ಹೆಸರು | ಶ್ರೀ ಅ. ದೇವೇಗೌಡ |
| 3 | ಉತ್ತರಿಸಬೇಕಾದ ದಿನಾಂಕ | 01/02/2021 |
| 4 | ಉತ್ತರಿಸಬೇಕಾದ ಸಚಿವರು | ವೈದ್ಯಕೀಯ ಶಿಕ್ಷಣ ಸಚಿವರು |

| ಕ್ರ. ಸಂ | ಪ್ರಶ್ನೆಗಳು | ಉತ್ತರಗಳು |
|---|---|---|
| ಅ) | ಆರು (6) ಕೋಟಿಗೂ ಮಿಗಿಲಾದ ಜನಸಂಖ್ಯೆಯುಳ್ಳ ರಾಜ್ಯದಲ್ಲಿ ಕ್ಯಾನ್ಸರ್ ಕಾಯಿಲೆಯಿಂದ ನರಳುತ್ತಿರುವ ರೋಗಿಗಳು ಚಿಕಿತ್ಸೆಗಾಗಿ ಪರದಾಡುತ್ತಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ? | ಕರ್ನಾಟಕದಲ್ಲಿ ಅಂದಾಜು 65000 ಜನರು ಪ್ರತಿವರ್ಷ ಕ್ಯಾನ್ಸರ್ ರೋಗಕ್ಕೆ ತುತ್ತಾಗುತ್ತಿದ್ದು ಇವರೆಲ್ಲರಿಗೂ ಸೂಕ್ತ ಚಿಕಿತ್ಸೆ ಒದಗಿಸುವ ಸಲುವಾಗಿ ಈಗಾಗಲೇ ಬೆಂಗಳೂರಿನಲ್ಲಿ ಕಿದ್ವಾಯಿ ಸ್ಮಾರಕ ಗಂಥಿ ಸಂಸ್ಥೆಯು ಕಾರ್ಯನಿರ್ವಹಿಸುತ್ತಿದ್ದು, ಈ ಸಂಸ್ಥೆಯು ಕ್ಯಾನ್ಸರ್ ರೋಗದಿಂದ ಬಳಲುತ್ತಿರುವ ಎಲ್ಲಾ ವರ್ಗದ ಜನರಿಗೆ ಅಂದಾಜು 20000 ರೋಗಿಗಳಿಗೆ ಸರ್ಕಾರದ ವಿವಿಧ ಯೋಜನೆ ಅಡಿ ಉತ್ತಮ ಆಧುನಿಕ ಚಿಕಿತ್ಸೆ ನೀಡಲಾಗುತ್ತಿದೆ. ಈಗಾಗಲೇ ರೋಬೋಟಿಕ್ ಶಸ್ತ್ರ ಚಿಕಿತ್ಸೆ ಹಾಗೂ ಆಧುನಿಕ ವಿಕಿರಣ ಯಂತ್ರಗಳ ಸಹಾಯದಿಂದ (IMRT, IGRT, SRS, SBRT) ಚಿಕಿತ್ಸೆಗಳನ್ನು ಎಲ್ಲಾ ವರ್ಗದ ಕ್ಯಾನ್ಸರ್ ರೋಗಿಗಳಿಗೆ ನೀಡಲಾಗುತ್ತಿದೆ. ಕಿದ್ವಾಯಿ ಸ್ಮಾರಕ ಗಂಥಿ ಸಂಸ್ಥೆಯ ಅಂಗ ಸಂಸ್ಥೆಯಾಗಿ ಕಲ್ಬುರ್ಗಿ ಜಿಲ್ಲೆಯಲ್ಲಿ ಫೆರಿಫೆರಲ್ ಕ್ಯಾನ್ಸರ್ ಕೇಂದ್ರವನ್ನು ಈಗಾಗಲೇ ಸ್ಥಾಪಿಸಲಾಗಿದ್ದು, ಸದರಿ ಕೇಂದ್ರವು ಈಗಾಗಲೇ ಕಾರ್ಯನಿರ್ವಹಣೆಯಲ್ಲಿರುತ್ತದೆ.<br><br>ಮುಂದುವರೆದಂತೆ, ವೈದ್ಯಕೀಯ ಶಿಕ್ಷಣ ಇಲಾಖೆಯ ವ್ಯಾಪ್ತಿಯಲ್ಲಿನ ಸ್ವಾಯತ್ತ ಸಂಸ್ಥೆಗಳಾದ ಮಂಡ್ಯ, ಹಾಸನ, ಕಾರವಾರ ಇಲ್ಲಿ ಕ್ಯಾನ್ಸರ್ ಕೇರ್ ಘಟಕಗಳನ್ನು ಪ್ರಾರಂಭಿಸಲು ಕ್ರಮವಹಿಸಲಾಗಿದೆ. |
| ಆ) | ಕ್ಯಾನ್ಸರ್ ಕಾಯಿಲೆಗೆ ಉತ್ತಮ ಚಿಕಿತ್ಸೆ ನೀಡಲು ಶ್ರಮಿಸುತ್ತಿರುವ ಬೆಂಗಳೂರಿನ ಕಿದ್ವಾಯಿ ಆಸ್ಪತ್ರೆಯ ಶಾಖೆಗಳನ್ನು ರಾಜ್ಯದ ಎಲ್ಲಾ ಜಿಲ್ಲೆಗಳಲ್ಲಿ ಒಂದೊಂದರಂತೆ ಮತ್ತು ಬೆಂಗಳೂರಿನ ವಿವಿಧ ಕಡೆ ತೆರೆಯುವ ಅವಶ್ಯಕತೆ ಬಗ್ಗೆ ಸರ್ಕಾರ ಪರಿಶೀಲಿಸಿ ಕ್ರಮ ಕೈಗೊಳ್ಳುವುದೇ? | ಕಿದ್ವಾಯಿ ಸ್ಮಾರಕ ಗಂಥಿ ಸಂಸ್ಥೆಯ ಅಂಗ ಸಂಸ್ಥೆಯಾಗಿ ತುಮಕೂರಿನ ಜಿಲ್ಲಾ ಆಸ್ಪತ್ರೆಯ ಆವರಣದಲ್ಲಿ ಫೆರಿಫೆರಲ್ ಕ್ಯಾನ್ಸರ್ ಕೇಂದ್ರವನ್ನು ರೂ. 6000.00 ಲಕ್ಷಗಳ ಮೊತ್ತದಲ್ಲಿ ನಿರ್ಮಿಸಲು ಆಡಳಿತಾತ್ಮಕ ಅನುಮೋದನೆ ನೀಡಲಾಗಿದೆ. ಟೆಂಡರ್ ಪ್ರಕ್ರಿಯೆ ಪ್ರಾರಂಭಿಸಬೇಕಾಗಿರುತ್ತದೆ.<br>ರಾಜ್ಯದ ಎಲ್ಲಾ ಜಿಲ್ಲೆಗಳಲ್ಲಿ ಕಿದ್ವಾಯಿ ಆಸ್ಪತ್ರೆಯ ಶಾಖೆಗಳನ್ನು ತೆರೆಯುವ ಕುರಿತು ಯಾವುದೇ ಪ್ರಸ್ತಾವನೆ ಸರ್ಕಾರದ ಮುಂದಿರುವುದಿಲ್ಲ. |

ಸಂಖ್ಯೆ: ಎಂಇಡಿ 34 ಕೆವಿಎಂ 2021

(ಡಾ|| ಕೆ. ಸುಧಾಕರ್)
ಆರೋಗ್ಯ ಮತ್ತು ಕುಟುಂಬ ಕಲ್ಯಾಣ
ಹಾಗೂ ವೈದ್ಯಕೀಯ ಶಿಕ್ಷಣ ಸಚಿವರು